# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಶುಕ್ರವಾರ, ದಿನಾಂಕ 24ನೇ ಸೆಪ್ಟೆಂಬರ್, 2021
(ಸಮಯ: ಬೆಳಿಗ್ಗೆ 10.30 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಹತ್ತನೇ ಪಟ್ಟಿ

ಆ) **ತಡೆಹಿಡಿಯಲಾದ ಪ್ರಶ್ನೆ:-**

ದಿನಾಂಕ: 17.09.2021ರ 5ನೇ ಪಟ್ಟಿಯಿಂದ ತಡೆಹಿಡಿಯಲಾದ ಶ್ರೀ ರಾಜಶೇಖರ್ ಬಸವರಾಜ ಪಾಟೀಲ್ ಇವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 68(1219) : ಮಾನ್ಯ ಕೈಮಗ್ಗ ಮತ್ತು ಜವಳಿ ಹಾಗೂ ಸಕ್ಕರೆ ಸಚಿವರು

ಇ) **ವರ್ಗಾವಣೆಗೊಂಡ ಪ್ರಶ್ನೆ:-**

1. ದಿನಾಂಕ: 21.09.2021ರ 7ನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ತನ್ವೀರ್ ಸೇಠ್ ಇವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 94(1870) : ಮಾನ್ಯ ನಗರಾಭಿವೃದ್ಧಿ ಸಚಿವರು
2. ದಿನಾಂಕ: 22.09.2021ರ 8ನೇ ಪಟ್ಟಿಯಿಂದ ವರ್ಗಾವಣೆಗೊಂಡ ಶ್ರೀ ಶಿವಲಿಂಗೇಗೌಡ ಕೆ.ಎಂ., ಇವರ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ: 119(2182) : ಮಾನ್ಯ ಸಹಕಾರ ಸಚಿವರು

ಈ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಹತ್ತನೇ ಪಟ್ಟಿ

## 2. ವರದಿಗಳನ್ನೊಪ್ಪಿಸುವುದು

1) **ಶ್ರೀ ಬಸನಗೌಡ ಆರ್. ಪಾಟೀಲ್ (ಯತ್ನಾಳ್)** (ಅಧ್ಯಕ್ಷರು, ಹಕ್ಕುಬಾಧ್ಯತೆಗಳ ಸಮಿತಿ) ಅವರು ಕರ್ನಾಟಕ ವಿಧಾನ ಸಭೆಯ ಹಕ್ಕುಬಾಧ್ಯತೆಗಳ ಸಮಿತಿಯ 2020-21ನೇ ಸಾಲಿನ ಮೊದಲನೇ ಹಾಗೂ ಎರಡನೇ ವರದಿಗಳನ್ನೊಪ್ಪಿಸುವುದು.

2) **ಶ್ರೀ ಜಿ. ಸೋಮಶೇಖರ ರೆಡ್ಡಿ** (ಅಧ್ಯಕ್ಷರು, ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ರಾಜ್ ಸಂಸ್ಥೆಗಳ ಸಮಿತಿ) ಅವರು ಕರ್ನಾಟಕ ವಿಧಾನಮಂಡಲದ ಸ್ಥಳೀಯ ಸಂಸ್ಥೆಗಳ ಮತ್ತು ಪಂಚಾಯತ್ ಸಂಸ್ಥೆಗಳ ಸಮಿತಿಯ 2020-21ನೇ ಸಾಲಿನ ಮೂವತ್ತನಾಲ್ಕನೇ ವರದಿಯನ್ನೊಪ್ಪಿಸುವುದು.

3) **ಶ್ರೀ ಎಂ.ಪಿ. ಕುಮಾರಸ್ವಾಮಿ** (ಅಧ್ಯಕ್ಷರು, ಅನುಸೂಚಿತ ಜಾತಿ ಮತ್ತು ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿ) ಅವರು ಕರ್ನಾಟಕ ವಿಧಾನಮಂಡಲದ ಅನುಸೂಚಿತ ಜಾತಿ ಮತ್ತು ಅನುಸೂಚಿತ ಪಂಗಡಗಳ ಕಲ್ಯಾಣ ಸಮಿತಿಯ 2020-21ನೇ ಸಾಲಿನ ನಾಲ್ಕನೇ ವರದಿಯನ್ನೊಪ್ಪಿಸುವುದು.

## 3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಸಿದ್ದರಾಮಯ್ಯ, ಕೆ.ಆರ್. ರಮೇಶ್ ಕುಮಾರ್, ಕೃಷ್ಣ ಬೈರೇಗೌಡ, ಡಿ.ಕೆ. ಶಿವಕುಮಾರ್, ಹೆಚ್.ಕೆ. ಪಾಟೀಲ್ ಹಾಗೂ ಡಾ. ಅಜಯ್ ಧರ್ಮಸಿಂಗ್** – ರಾಜ್ಯದಲ್ಲಿ ಇತ್ತೀಚೆಗೆ ಸಂಬಂಧಿಸಿದ ಕೋವಿಡ್-19ರ ಎರಡನೇ ಅಲೆಯಿಂದ ಅಪಾರ ಪ್ರಮಾಣದ ಸಾವು ನೋವುಗಳು ಸಂಭವಿಸಿದ್ದು, ಈ ಸಾಂಕ್ರಾಮಿಕ ಕಾಯಿಲೆಯಿಂದ ಮರಣ ಹೊಂದಿದ ಕುಟುಂಬ ಸದಸ್ಯರಿಗೆ ಪರಿಹಾರ ನೀಡುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ನಡೆದ ಚರ್ಚೆಗೆ ಸರ್ಕಾರದ ಉತ್ತರ.

2) **ಶ್ರೀಯುತರುಗಳಾದ ಕೆ.ಎಂ. ಶಿವಲಿಂಗೇಗೌಡ, ಎಸ್.ಆರ್. ಶ್ರೀನಿವಾಸು (ವಾಸು), ಡಾ. ಹೆಚ್.ಡಿ. ರಂಗನಾಥ್, ಕೆ.ಎಸ್. ಲಿಂಗೇಶ್, ಗೂಳಿಹಟ್ಟಿ ಡಿ. ಶೇಖರ್, ಶ್ರೀಮತಿ ಕೆ. ಪೂರ್ಣಿಮ ಹಾಗೂ ಇತರರು** – ರಾಜ್ಯದಲ್ಲಿ ಕಾಡು ಗೊಲ್ಲ ಉಪ ಪಂಗಡಗಳನ್ನು ಪರಿಶಿಷ್ಟ ಪಂಗಡಕ್ಕೆ ಸೇರ್ಪಡೆಗೊಳಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

3) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಹೆಚ್.ಡಿ. ಕುಮಾರ ಸ್ವಾಮಿ, ಹೆಚ್.ಡಿ. ರೇವಣ್ಣ, ಸಿ.ಎಸ್. ಪುಟ್ಟರಾಜು, ಕೆ.ಎಸ್. ಲಿಂಗೇಶ್ ಹಾಗೂ ಇತರರು** – ರಾಜ್ಯದಲ್ಲಿ ಮುಂಗಾರಿನಲ್ಲಿ ಬಿದ್ದ ಮಳೆಯಿಂದಾಗಿ ರೈತರು ಬೆಳೆದ ಬೆಳೆಗಳಿಗೆ ಹಾಗೂ ಸಾರ್ವಜನಿಕ ಆಸ್ತಿ ಪಾಸ್ತಿಗಳಿಗೆ ಹಾನಿಯುಂಟಾಗಿರುವುದರಿಂದ ಪರಿಹಾರವನ್ನು ವಿತರಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಶ್ರೀಯುತರುಗಳಾದ ಹೆಚ್.ಡಿ. ಕುಮಾರಸ್ವಾಮಿ, ಸಿ.ಎನ್. ಬಾಲಕೃಷ್ಣ, ಕೆ.ಎಸ್. ಲಿಂಗೇಶ್, ಹೆಚ್.ಡಿ. ರೇವಣ್ಣ, ಬಂಡಪ್ಪ ಖಾಶೆಂಪೂರ್ ಹಾಗೂ ಇತರರು** – ವಿವಿಧ ಇಲಾಖೆಗಳಲ್ಲಿ ಆರ್ಥಿಕ ಇಲಾಖೆಯ ಮಾನದಂಡಗಳನ್ನು ಉಲ್ಲಂಘಿಸಿ ಜೇಷ್ಠತೆಯನ್ನು ಪಾಲಿಸದೆ ಕೆಲವೇ ಗುತ್ತಿಗೆದಾರರಿಗೆ ಹಣ ಭರವಸೆ ಪತ್ರಗಳನ್ನು ನೀಡುತ್ತಿರುವುದರಿಂದ ಸಣ್ಣ ಗುತ್ತಿಗೆದಾರರು ತೀವ್ರ ಸಂಕಷ್ಟಕ್ಕೊಳಗಾಗಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

.. 3/ ..

5) **ಶ್ರೀಯುತರುಗಳಾದ ಸಿದ್ದರಾಮಯ್ಯ, ಕೆ.ಆರ್. ರಮೇಶ್ ಕುಮಾರ್, ಪ್ರಿಯಾಂಕ ಖರ್ಗೆ, ಕೃಷ್ಣ ಬೈರೇಗೌಡ, ಹೆಚ್.ಪಿ. ಮಂಜುನಾಥ್ ಹಾಗೂ ಇತರರು** – ರಾಜ್ಯ ಸರ್ಕಾರವು ಜೇಷ್ಠತೆ ಸಂರಕ್ಷಣಾ ಕಾಯ್ದೆ 2017ರ ಮೂಲಕ 1978ರಿಂದ ಎಲ್ಲಾ ಪರಿಶಿಷ್ಟ ಜಾತಿ/ಪರಿಶಿಷ್ಟ ಪಂಗಡಗಳ ಅಧಿಕಾರಿ/ನೌಕರರ ಜೇಷ್ಠತೆಯನ್ನು ಸಂರಕ್ಷಿಸಿದ್ದರೂ ಸಹ ಸಿಬ್ಬಂದಿ ಮತ್ತು ಆಡಳಿತ ಸುಧಾರಣಾ ಇಲಾಖೆ ಸುತ್ತೋಲೆಯ ಮೂಲಕ ಜೇಷ್ಠತೆಗಳಿಗೆ ಭಂಗ ತರುತ್ತಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

6) **ಶ್ರೀಯುತರುಗಳಾದ ಸಿದ್ದರಾಮಯ್ಯ, ಆರ್.ವಿ. ದೇಶಪಾಂಡೆ, ಪ್ರಿಯಾಂಕ ಖರ್ಗೆ, ಡಾ. ಅಜಯ್ ಧರ್ಮಸಿಂಗ್, ಜೆ.ಎನ್. ಗಣೇಶ್ ಹಾಗೂ ಇತರರು** – ಹೊಸದಾಗಿ ಜಾರಿಗೆ ತರುತ್ತಿರುವ ರಾಷ್ಟ್ರೀಯ ಶಿಕ್ಷಣ ನೀತಿಯಲ್ಲಿ ಸಂವಿಧಾನದ ಆಶಯಗಳಾದ ವೈಜ್ಞಾನಿಕ, ವೈಚಾರಿಕ ಮನೋಭಾವ, ಸಾಮಾಜಿಕ ನ್ಯಾಯ ಮುಂತಾದವುಗಳ ಪ್ರಸ್ತಾವ ಇಲ್ಲದಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 4. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಅಭಯ ಪಾಟೀಲ ಅವರು** – ಬೆಳಗಾವಿ ನಗರದಲ್ಲಿ ನಗರಾಭಿವೃದ್ಧಿ ಪ್ರಾಧಿಕಾರದಿಂದ ಏಕ ವಸತಿ ನಿವೇಶನಕ್ಕೆ ಅನುಮೋದನೆಯನ್ನು ಪಡೆದುಕೊಂಡು ನಗರ/ಗ್ರಾಮೀಣ ಭೂಮಾಪನ ಇಲಾಖೆಯಿಂದ ಕಾನೂನು ಬಾಹಿರವಾಗಿ ಮಾರಾಟ ಮಾಡಿರುವ ಬಗ್ಗೆ ತನಿಖೆ ನಡೆಸಲು ಹಾಗೂ ತಪ್ಪಿತಸ್ಥ ಅಧಿಕಾರಿಗಳ ವಿರುದ್ಧ ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ನಗರಾಭಿವೃದ್ಧಿ ಸಚಿವರ ಗಮನ ಸೆಳೆಯುವುದು.

2) **ಶ್ರೀ ರಾಮಲಿಂಗಾರೆಡ್ಡಿ ಅವರು** – ಪೊಲೀಸ್ ಸಿಬ್ಬಂದಿಗಳು ಸಂಚಾರ ಉಲ್ಲಂಘನೆ ಮಾಡಿದ ವಾಹನಗಳನ್ನು ತಡೆಗಟ್ಟುವ ಸಂದರ್ಭದಲ್ಲಿ ಅಪಘಾತವಾಗುತ್ತಿರುವ ಬಗ್ಗೆ ಹಾಗೂ ಬೆಂಗಳೂರು ನಗರದಲ್ಲಿ ಸಾರ್ವಜನಿಕರ ವಾಹನಗಳ ಟೋಯಿಂಗ್ ವಾಹನ ಹಾಗೂ ಸ್ಪಾಟ್ ಫೈನ್ ನೀತಿಯಿಂದ ಸಾರ್ವಜನಿಕರಿಗೆ ತೊಂದರೆಯಾಗುತ್ತಿರುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

3) **ಶ್ರೀ ಹೆಚ್. ಹಾಲಪ್ಪ ಹರತಾಳು ಅವರು** – ರಾಜ್ಯದಲ್ಲಿ ಶಾಲೆಗಳಿಗೆ ನೀಡಿರುವ ಜಮೀನನ್ನು ರೈತರು ಸಾಗುವಳಿ ಮಾಡಿಕೊಂಡಿದ್ದು, ಸದರಿ ಶಾಲಾ ಜಾಗವನ್ನು ದುರುಪಯೋಗ ಪಡಿಸಿಕೊಳ್ಳುವುದನ್ನು ತಡೆಗಟ್ಟಲು, ಸದರಿ ಜಮೀನನ್ನು ಭೂ ಸುಧಾರಣೆ ಕಾಯ್ದೆಯಲ್ಲಿ ಗೇಣಿದಾರರಿಗೆ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

4) **ಶ್ರೀ ಎಂ.ಎಸ್. ಸೋಮಲಿಂಗಪ್ಪ ಅವರು** – 2009ರ ಅತಿವೃಷ್ಟಿಯಿಂದಾಗಿ ಮುಳುಗಡೆಯಾಗಿದ್ದ ಬಳ್ಳಾರಿ ಜಿಲ್ಲೆಯ ಸಿರಗುಪ್ಪ ತಾಲ್ಲೂಕಿನ 16 ಗ್ರಾಮಗಳನ್ನು ಸ್ಥಳಾಂತರಿಸಲಾಗಿದ್ದು, ಈ ಗ್ರಾಮಗಳ ನಿವಾಸಿಗಳಿಗೆ ಪಟ್ಟಾ ವಿತರಣೆ ಮಾಡುವ ಬಗ್ಗೆ ಮಾನ್ಯ ಕಂದಯ ಸಚಿವರ ಗಮನ ಸೆಳೆಯುವುದು.

5) **ಶ್ರೀ ಬಂಡೆಪ್ಪ ಖಾಶೆಂಪುರ್ ಅವರು** – ರಾಜ್ಯದಲ್ಲಿ ಐ.ಸಿ.ಡಿ.ಎಸ್. ಯೋಜನೆಯಲ್ಲದೆ ವಿವಿಧ ಇಲಾಖೆಯ ಯೋಜನೆಗಳಲ್ಲಿ, ಚುನಾವಣಾ ಕಾರ್ಯಗಳಲ್ಲಿ ಹಾಗೂ ಕರೋನ ಸಂದರ್ಭದಲ್ಲಿಯೂ ಫ್ರಂಟ್ ಲೈನ್ ವಾರಿಯರ್ಸ್‌ಗಳಾಗಿ ಕಾರ್ಯನಿರ್ವಹಿಸಿರುವ ಅಂಗನವಾಡಿ ನೌಕರರಿಗೆ ಸೇವಾ ಜೇಷ್ಠತೆ, ವೇತನ ಹೆಚ್ಚಳ ಹಾಗೂ ಇತರೆ ಸೌಲಭ್ಯಗಳನ್ನು ಒದಗಿಸುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

6) **ಶ್ರೀ ಗೂಳಿಹಟ್ಟಿ ಡಿ. ಶೇಖರ್ ಅವರು** – ಹೊಸದರ್ಗು ತಾಲ್ಲೂಕಿನ ವಿವಿಧ ಗ್ರಾಮಗಳಿಗೆ ಸುರಂಗ ಮಾರ್ಗ ಹಾದುಹೋಗಿರುವ ಅಪ್ಪರ್ ಭದ್ರಾ ಯೋಜನೆಯಿಂದ ಸಂಕಷ್ಟಕ್ಕೆ ಒಳಗಾಗಿರುವ ಎಡಭಾಗದ ರೈತರ ಜಮೀನುಗಳಿಗೂ ಸಹ ಹೊಸದುರ್ಗ ತಾಲ್ಲೂಕಿಗೆ ಹಂಚಿಕೆಯಾಗಿರುವ ನೀರು ಪ್ರಮಾಣದಲ್ಲೇ ನೀರನ್ನು ಒದಗಿಸಲು ಡ್ರಿಪ್ ಅಳವಡಿಸುವ ಕಾಮಗಾರಿಯನ್ನು ಅನುಷ್ಠಾನಗೊಳಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

7) **ಡಾ. ಕೆ. ಶ್ರೀನಿವಾಸಮೂರ್ತಿ ಅವರು** – ನೆಲಮಂಗಲ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ಮೊಟಗೊಂಡನಹಳ್ಳಿಯಲ್ಲಿ ಕಾಮಗಾರಿ ಪೂರ್ಣಗೊಂಡಿರುವ ಪ್ರಾಥಮಿಕ ಆರೋಗ್ಯ ಕೇಂದ್ರವನ್ನು ಉದ್ಘಾಟಿಸುವ ಬಗ್ಗೆ ಹಾಗೂ ವೈದ್ಯಾಧಿಕಾರಿ/ಸಿಬ್ಬಂದಿಗಳನ್ನು ನೇಮಕಾತಿ ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

8) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಬೇಲೂರು ವಿಧಾನಸಭಾ ಕ್ಷೇತ್ರದಲ್ಲಿ ವಾಸವಿರುವ ಸಾಲುಮರದ ತಿಮ್ಮಕ್ಕನವರಿಗೆ ಬೇಲೂರು ಪಟ್ಟಣದಲ್ಲಿ ಜಮೀನು ಮಂಜೂರು ಮಾಡಲು ಹಾಗೂ ಬೇಲೂರು ಪಟ್ಟಣದಲ್ಲಿ ಸಾಲುಮರದ ತಿಮ್ಮಕ್ಕ ಮ್ಯೂಸಿಯಂ ಅನ್ನು ಪ್ರಾರಂಭಿಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

9) **ಶ್ರೀ ಕೆ. ಮಹದೇವ್ ಅವರು** – ರಾಜ್ಯದಲ್ಲಿರುವ ವಿದ್ಯುತ್ ಕಂದಾಯ ವಸೂಲಿಗಾರರು ಮತ್ತು ಮಾಪಕ ಓದುಗಾರರನ್ನು ಖಾಯಂಗೊಳಿಸುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

10) **ಶ್ರೀ ಅಶ್ವಿನ್ ಕುಮಾರ್ ಎಂ. ಅವರು** – ಮೈಸೂರು ಜಿಲ್ಲೆಯ ಟಿ.ನರಸೀಪುರ ತಾಲ್ಲೂಕು ಮೂಗೂರು ಹೋಬಳಿ ಕನ್ನಹಳ್ಳಿ ಗ್ರಾಮದ ಸರ್ಕಾರಿ ಜಮೀನಿನಲ್ಲಿ ಪರಿಶಿಷ್ಟ ಜಾತಿ/ ಪರಿಶಿಷ್ಟ ಪಂಗಡದ ಹಾಗೂ ಹಿಂದುಳಿದ ವರ್ಗಗಳ ಗ್ರಾಮೀಣ ಭಾಗದ ಪ್ರತಿಭಾವಂತ ವಿದ್ಯಾರ್ಥಿಗಳ ಉನ್ನತ ವ್ಯಾಸಂಗಕ್ಕೆ ಅನುಕೂಲವಾಗುವಂತೆ ಇಂದಿರಾಗಾಂಧಿ ವಸತಿ ಶಾಲೆಯ ನೂತನ ಸ್ವಂತ ಕಟ್ಟಡವನ್ನು ನಿರ್ಮಾಣ ಮಾಡುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

.. 5/ ..

## 5. ಅರ್ಧ ಗಂಟೆ ಕಾಲಾವಧಿ ಚರ್ಚೆ

1) **ಶ್ರೀ ಜೆ.ಎನ್. ಗಣೇಶ್ ಅವರು** – ಕಂಪ್ಲಿ ನಗರದಲ್ಲಿರುವ ಸಕ್ಕರೆ ಕಾರ್ಖಾನೆಯ ಕಾರ್ಯಾಚರಣೆ ಸ್ಥಗಿತಗೊಂಡಿರುವ ಬಗ್ಗೆ ದಿನಾಂಕ: 17.09.2021ರಂದು ಐದನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 65(871)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಭಾರಿ ಪ್ರಮಾಣದ ಸರ್ಕಾರಿ ಜಮೀನುಗಳು ಸುಳ್ಳು ದಾಖಲೆಗಳ ಮೂಲಕ ಭೂಗಳ್ಳರ ಪಾಲಾಗುತ್ತಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3) **ಶ್ರೀ ಜೆ.ಎನ್. ಗಣೇಶ್ ಅವರು** – ಪರಿಶಿಷ್ಟ ಪಂಗಡಕ್ಕೆ ಮೀಸಲಾತಿಯನ್ನು ಘೋಷಣೆ ಮಾಡುವುದಕ್ಕೆ ಸಂಬಂಧಿಸಿದಂತೆ ನಿವೃತ್ತ ನ್ಯಾಯಮೂರ್ತಿ ನೇತೃತ್ವದ ತ್ರಿಸದಸ್ಯ ಸಮಿತಿ ರಚನೆ ಮಾಡಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

4) **ಶ್ರೀ ಶರತ್ ಕುಮಾರ್ ಬಚ್ಚೇಗೌಡ ಅವರು** – "ಪ್ರಧಾನ ಮಂತ್ರಿ ಅವಾಸ್ ಯೋಜನೆ"ಯ ಬಗ್ಗೆ ದಿನಾಂಕ: 20.09.2021ರ ಆರನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 85(1507)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

5) **ಶ್ರೀ ಶಿವಾನಂದ ಎಸ್. ಪಾಟೀಲ್ ಅವರು** – "ಲಾಲ್ ಬಹದ್ದೂರ್ ಶಾಸ್ತ್ರಿ ಅಣೆಕಟ್ಟು ಎತ್ತರ" ಎಂಬ ವಿಷಯದ ಬಗ್ಗೆ ದಿನಾಂಕ:21.09.2021ರ ಏಳನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 92(2003) ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ

ಹಾಗೂ

**ಶ್ರೀಯುತರುಗಳಾದ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್, ಅಮರೇಗೌಡ ಎಲ್. ಪಾಟೀಲ್ ಬಯ್ಯಾಪುರ, ಎ.ಎಸ್. ಪಾಟೀಲ್ (ನಡಹಳ್ಳಿ), ಮಹಾಂತೇಶ್ ಕೌಜಲಗಿ, ಸಿದ್ದು ಸವದಿ ಹಾಗೂ ಇತರರು** ಇದೇ ವಿಷಯಕ್ಕೆ ಸಂಬಂಧಿಸಿದಂತೆ ನೀಡಿರುವ ಸೂಚನೆ ಮೇಲೆ ಅರ್ಧ ಗಂಟೆ ಕಾಲ ಚರ್ಚಿಸುವುದು.

ಎಂ.ಕೆ. ವಿಶಾಲಾಕ್ಷಿ
ಕಾರ್ಯದರ್ಶಿ(ಪ್ರ)

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm